ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಅಲ್ಪ ಸಂಖ್ಯಾತರ ಕಲ್ಯಾಣ ಇಲಾಖೆಯ ಕಾರ್ಯಕ್ರಮಗಳ ಬಗ್ಗೆ

ಶ್ರೀ ಎಂ. ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

425(535) ಮಾನ್ಯ ಕೈಮಗ್ಗ ಮತ್ತು ಜವಳಿ ಹಾಗೂ ಅಲ್ಪ ಸಂಖ್ಯಾತರ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಅಲ್ಪ ಸಂಖ್ಯಾತರ ಕಲ್ಯಾಣ ಇಲಾಖೆಯಿಂದ ಸರ್ಕಾರವು ಜಾರಿಗೊಳಿಸುತ್ತಿರುವ ಯೋಜನೆಗಳು ಯಾವುವು; ಈ ಯೋಜನೆಗಳ ಮಾನದಂಡಗಳೇನು; (ವಿವರ ನೀಡುವುದು)

(ಆ) ಈ ಯೋಜನೆಗಳಡಿ ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಗೆ ಬಿಡುಗಡೆ ಮಾಡಿದ ಅನುದಾನವೆಷ್ಟು; ವೆಚ್ಚವಾದ ಮೊತ್ತ ಎಷ್ಟು;

(ಇ) ಈ ಯೋಜನೆಗಳ ಸದುಪಯೋಗ ಪಡೆದುಕೊಂಡ ಫಲಾನುಭವಿಗಳ ವಿವರಗಳನ್ನು ತಾಲ್ಲೂಕುವಾರು ಒದಗಿಸುವುದು; (ಸಂಪೂರ್ಣ ವಿವರ ನೀಡುವುದು)

(ಈ) ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಯಲ್ಲಿ ಹಜ್ ಯಾತ್ರೆಗೆ ತೆರೆಳಲು ಸಹಾಯಧನ ಕೋರಿ ಸ್ವೀಕೃತವಾದ ಅರ್ಜಿಗಳೆಷ್ಟು; ಇದರಲ್ಲಿ ಎಷ್ಟು ಫಲಾನುಭವಿಗಳಿಗೆ ಸಹಾಯಧನ ನೀಡಲಾಗಿದೆ; ಬಾಕಿ ಉಳಿದಿರುವ ಅರ್ಜಿದಾರರಿಗೆ ಸಹಾಯಧನ ನೀಡುವುದು ಯಾವಾಗ? (ಸಂಪೂರ್ಣ ವಿವರ ನೀಡುವುದು)